ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಬೀದರ್ ಜಿಲ್ಲೆಯ ಸರ್ಕಾರಿ ಆಸ್ಪತ್ರೆಯ ಮೂಲ ಸೌಕರ್ಯದ ಬಗ್ಗೆ

ಶ್ರೀ ಅರವಿಂದ ಕುಮಾರ್ ಅರಳಿ(ವಿಧಾನಸಭೆಯಿಂದ ಚುನಾಯಿತರಾದವರು) –

01 (45) ಮಾನ್ಯ ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ –

(ಅ) ಬೀದರ್ ನಗರದಲ್ಲಿ ನೂರು ಹಾಸಿಗೆಗಳ ಆಸ್ಪತ್ರೆಯನ್ನು ನಿರ್ಮಿಸಿ ಹಲವು ವರ್ಷಗಳಾದರೂ ಅದಕ್ಕೆ ಮೂಲಸೌಕರ್ಯ ಒದಗಿಸದೇ ಇರುವುದಕ್ಕೆ ಕಾರಣವೇನು; ಈ ಆಸ್ಪತ್ರೆ ಇಲ್ಲಿಯವರೆಗೆ ಉದ್ಘಾಟನೆಯಾಗದಿರಲು ಕಾರಣವೇನು;

(ಆ) ಈ ಆಸ್ಪತ್ರೆಯಲ್ಲಿ ವೈದ್ಯರು ಮತ್ತು ಸಿಬ್ಬಂದಿಗಳು ಇಲ್ಲಿಯವರೆಗೆ ನೇಮಕಗೊಂಡಿರುವುದಿಲ್ಲ ಎಂಬುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಬಂದಿದ್ದರೆ, ವೈದ್ಯರು ಮತ್ತು ಸಿಬ್ಬಂದಿಗಳ ನೇಮಕಾತಿ ಮಾಡಿ ಸಾರ್ವಜನಿಕರ ಉಪಯೋಗಕ್ಕೆ ಒದಗಿಸುವುದು ಯಾವಾಗ?